ಸದನದಲ್ಲಿ ಉತ್ತರಿಸುವ ಪ್ರಶ್ನೆಗಳು



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತನೆಯ ಅಧಿವೇಶನ

ಬುಧವಾರ, ದಿನಾಂಕ : 04 ನೇ ಮಾರ್ಚ್, 2020

ಮಾಗಡಿ ರಾಷ್ಟ್ರೀಯ ಹೆದ್ದಾರಿ 85ರಲ್ಲಿ ಚತುಷ್ಪಥ ರಸ್ತೆ ಕಾಮಗಾರಿ

ಶ್ರೀ ಅ. ದೇವೇಗೌಡ (ಪದವೀಧರರ ಕ್ಷೇತ್ರ) –

41 (247) ಮಾನ್ಯ ಉಪ ಮುಖ್ಯಮಂತ್ರಿಗಳು ಮತ್ತು ಲೋಕೋಪಯೋಗಿ ಮತ್ತು ಸಮಾಜ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ–

(ಅ) ಬೆಂಗಳೂರು ಮಾಗಡಿ ರಾಷ್ಟ್ರೀಯ ಹೆದ್ದಾರಿ 85ರಲ್ಲಿ ಚತುಷ್ಪಥ ರಸ್ತೆ ಕಾಮಗಾರಿ ಪ್ರಸ್ತುತ ಯಾವ ಹಂತದಲ್ಲಿದೆ ;

(ಆ) ಈ ರಸ್ತೆಯಲ್ಲಿ ಹಾದು ಹೋಗುವ ಚೋಳನಾಯಕನಹಳ್ಳಿ ಮತ್ತು ತಾವರೆಕೆರೆ ಗ್ರಾಮದಲ್ಲಿ ದ್ವಿಪತ ರಸ್ತೆ ನಿರ್ಮಿಸಿದ್ದಲ್ಲಿ ಈ ಗ್ರಾಮಗಳಲ್ಲಿ ಮೇಲ್ಸೇತುವೆ ನಿರ್ಮಾಣದ ಬಗ್ಗೆ ಯಾವ ಕ್ರಮ ತೆಗೆದುಕೊಳ್ಳಲಾಗಿದೆ ;

(ಇ) ಈ ಕಾಮಗಾರಿ ಪೂರ್ಣಗೊಳ್ಳಲು ತಗಲುವ ಸಮಯಾವಕಾಶ ಎಷ್ಟು ?